

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 17-03-2021 ಪ್ರಶ್ನೆ ಸಂಖ್ಯೆ : 1181 (1474)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಆರ್.ಧರ್ಮಸೇನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 17-03-2021

ಉತ್ತರಿಸುವ ಸಚಿವರು : ಮುಜರಾಯಿ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು

ವಿಷಯ : ಮುಜರಾಯಿ ಇಲಾಖೆಯಲ್ಲಿ ತಾತ್ಕಾಲಿಕ ಕಾರ್ಮಿಕರನ್ನು ತೆಗೆದು ಹಾಕಿರುವ ಬಗ್ಗೆ

(ಅ) ಮುಜರಾಯಿ ಇಲಾಖೆಯ ಕೇಂದ್ರ ಕಛೇರಿಯಲ್ಲಿ ಕಳೆದ 10 ವರ್ಷಗಳಿಂದ ದಿನಗೂಲಿ ಆಧಾರದಲ್ಲಿ ಸೇವೆ ಸಲ್ಲಿಸಿದ್ದ ಪರಿಶಿಷ್ಟ ಜಾತಿಗೆ ಸೇರಿದ ಸ್ವಚ್ಛತಾ ಕಾರ್ಮಿಕರನ್ನು ಕೆಲಸದಿಂದ ತೆಗೆದು ಹಾಕಿರುವುದು ನಿಜವೇ ; ಹಾಗಿದ್ದಲ್ಲಿ, ಅದಕ್ಕೆ ಕಾರಣವೇನು ;

(ಆ) ದಿನಾಂಕ: 17.07.2019ರಲ್ಲಿ ಧಾರ್ಮಿಕ ದತ್ತಿ ಇಲಾಖಾ ವ್ಯಾಪ್ತಿಗೆ ಒಳಪಡುವ ಅಧಿಸೂಚಿನ ದೇವಾಲಯ/ಸಂಸ್ಥೆಗಳಲ್ಲಿ ತಾತ್ಕಾಲಿಕವಾಗಿ ಕೆಲಸ ನಿರ್ವಹಿಸುತ್ತಿದ್ದ ಸುಮಾರು 2500 ನೌಕರರನ್ನು ಪರಿಗಣಿಸಿ ವೇತನ ಶ್ರೇಣಿ ನೀಡಿರುವುದು ನಿಜವಲ್ಲವೇ;

(ಇ) ಅದೇ ರೀತಿ ಕಳೆದ 10 ವರ್ಷಗಳಿಂದ ತಾತ್ಕಾಲಿಕವಾಗಿ ಸೇವೆ ಸಲ್ಲಿಸುತ್ತಿರುವ ಪರಿಶಿಷ್ಟ ಜಾತಿ ಸೇರಿದ ಸ್ವಚ್ಛತಾ ಕಾರ್ಮಿಕರನ್ನು ಪುನರ್ ನೇಮಿಸಿ ವೇತನ ಶ್ರೇಣಿ ನೀಡಲು ಕ್ರಮ ಕೈಗೊಳ್ಳಲಾಗುವುದೇ ?